ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ಕೊಪ್ಪಳ ಜಿಲ್ಲೆಯಲ್ಲಿ ಇಂದಿಗೂ ಬಾಲ ಕಾರ್ಮಿಕ ಪದ್ಧತಿ ಜಾರಿಯಲ್ಲಿರುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

419 (547) ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೊಪ್ಪಳ ಜಿಲ್ಲೆಯಲ್ಲಿ ಇಂದಿಗೂ ಬಾಲ ಕಾರ್ಮಿಕ ಪದ್ಧತಿ ಜಾರಿಯಲ್ಲಿದ್ದು ಮಕ್ಕಳು ಹೊಲಗದ್ದೆ, ಹೋಟೆಲ್ ಇಟ್ಟಿಗೆ ಭಟ್ಟಿಗಳು ಹಾಗೂ ಬೀದಿ ಬೀದಿ ವ್ಯಾಪಾರಗಳಲ್ಲಿ ದುಡಿಯುತ್ತಿದ್ದು, ಚಿಕ್ಕ ವಯಸ್ಸಿನಲ್ಲಿಯೇ ಹಲವಾರು ದುಶ್ಚಟಗಳಿಗೆ ಬಲಿಯಾಗುತ್ತಿರುವುದು ಹಾಗೂ ಇದರಿಂದಾಗಿ ಮಕ್ಕಳ ಹಕ್ಕಿಗೆ ಧಕ್ಕೆಯುಂಟಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಬಾಲ ಕಾರ್ಮಿಕ ಪದ್ಧತಿ ನಿರ್ಮೂಲನೆಗೆ ಈವರೆಗೂ ಸರ್ಕಾರ ಯಾವ ಕ್ರಮಗಳನ್ನು ಕೈಗೊಂಡಿದೆ; (ಸಂಪೂರ್ಣ ವಿವರ ಒದಗಿಸುವುದು)

(ಇ) ಮಕ್ಕಳನ್ನು ದುಡಿಮೆಗೆ ಇಟ್ಟುಕೊಂಡವರು ಹಾಗೂ ದುಡಿಮೆಗೆ ಕಳುಹಿಸಿದವರ ಮೇಲೆ ಇಲ್ಲಿಯವರೆಗೆ ಸರ್ಕಾರ ಕೈಗೊಂಡ ಕ್ರಮಗಳೇನು? (ಮಾಹಿತಿ ಒದಗಿಸುವುದು)